ಲಿಖಿತ ಮೂಲಕ ಉತ್ತರಿಸುವ ಪ್ರಶ್ನೆ



**ಕರ್ನಾಟಕ ವಿಧಾನ ಪರಿಷತ್ತು**

ನೂರ ನಲವತ್ತೊಂದನೆಯ ಅಧಿವೇಶನ

ಮಂಗಳವಾರ, ದಿನಾಂಕ: 22ನೇ ಸೆಪ್ಟಂಬರ್, 2020

ಹೊಸ ಬಡಾವಣೆ ಮತ್ತು ಅಪಾರ್ಟ್‌ಮೆಂಟ್‌ಗಳಿಗೆ ನೀರು ಸರಬರಾಜು ಮತ್ತು ಒಳಚರಂಡಿ ವ್ಯವಸ್ಥೆ ಕಲ್ಪಿಸುವ ಬಗ್ಗೆ

ಶ್ರೀ ಪಿ.ಆರ್. ರಮೇಶ್ (ನಾಮನಿರ್ದೇಶನ ಹೊಂದಿದವರು):-

218 (199) ಮಾನ್ಯ ನಗರಾಭಿವೃದ್ಧಿ ಸಚಿವರು ಈ ವಿಷಯಗಳನ್ನು ದಯವಿಟ್ಟು ತಿಳಿಸುವರೆ:-

(ಅ) ರಾಜ್ಯದ ನಗರ ಹಾಗೂ ಪಟ್ಟಣ ಪ್ರದೇಶಗಳಲ್ಲಿ ನಿರ್ಮಾಣಗೊಂಡಿರುವ ಹಾಗೂ ನಿರ್ಮಾಣ ಹಂತದಲ್ಲಿರುವ ಹಲವು ಹೊಸ ಬಡಾವಣೆಗಳು ಮತ್ತು ಅಪಾರ್ಟ್‌ಮೆಂಟ್‌ಗಳಿಗೆ ನೀರು ಸರಬರಾಜು ಮತ್ತು ಒಳಚರಂಡಿ ವ್ಯವಸ್ಥೆ ಕಲ್ಪಿಸಲು ಇರುವ ಮಾನದಂಡಗಳೇನು ; (ವಿವರ ನೀಡುವುದು)

(ಆ) ಈ ಹೊಸ ಬಡಾವಣೆಗಳು ಮತ್ತು ಅಪಾರ್ಟ್‌ಮೆಂಟ್‌ಗಳ ಗೃಹ ತ್ಯಾಜ್ಯ ನೀರು ಸಂಸ್ಕರಣೆಯಾ ಗದೆ ಸಮೀಪದ ಬಯಲು ಮತ್ತು ಹಳ್ಳ ಪ್ರದೇಶಗಳಿಗೆ ಸೇರುತ್ತಿರುವ ವಿಷಯ ಸರ್ಕಾರದ ಗಮನಕ್ಕೆ ಬಂದಿದೆಯೇ ; ಬಂದಿದ್ದಲ್ಲಿ, ಸರ್ಕಾರ ತೆಗೆದುಕೊಂಡ ಕ್ರಮವೇನು;

(ಇ) ಅನೇಕ ಪ್ರದೇಶಗಳಲ್ಲಿ ಈ ಮಲಿನ ಗೃಹ ತ್ಯಾಜ್ಯ ನೀರು ಸಂಸ್ಕರಣೆಯಾಗದೆ ಅಂತರ್ಜಲಕ್ಕೆ ಸೇರಿ ಸಮೀಪದ ಕುಡಿಯುವ ನೀರಿನ ಮೂಲವನ್ನು ಕಲುಷಿತಗೊಳಿಸುವ ಸಂಭವವಿರುವ ವಿಷಯ ಸರ್ಕಾರದ ಗಮನಕ್ಕೆ ಬಂದಿದೆಯೇ ;

(ಈ) ಈ ಕುಡಿಯುವ ನೀರಿನ ಮೇಲೆ ಅವಲಂಬಿತ ಕುಟುಂಬಗಳ ಪರಿಸ್ಥಿತಿಯ ಬಗ್ಗೆ ಸರ್ಕಾರದ ನಿಲುವೇನು ? (ವಿವರ ನೀಡುವುದು)